

**ಕರ್ನಾಟಕ ವಿಧಾನ ಪರಿಷತ್ತು**

| | | |
|---|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : | 156 |
| ಸದಸ್ಯರ ಹೆಸರು | : | ಶ್ರೀ ಯು.ಬಿ.ವೆಂಕಟೇಶ್ |
| ಉತ್ತರಿಸುವ ದಿನಾಂಕ | : | 01-02-2021 |
| ಉತ್ತರಿಸುವ ಸಚಿವರು | : | ಸಮಾಜ ಕಲ್ಯಾಣ ಸಚಿವರು. |

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದಲ್ಲಿ ಸಮಾಜ ಕಲ್ಯಾಣ ಇಲಾಖೆಯಿಂದ ನಡೆಸುತ್ತಿರುವ ವಿದ್ಯಾರ್ಥಿನಿಲಯಗಳನ್ನು ಕೋವಿಡ್-19 ಹಿನ್ನೆಲೆಯಲ್ಲಿ ಇನ್ನೂ ತೆರೆಯದಿರುವುದರಿಂದ ವಿದ್ಯಾರ್ಥಿಗಳಿಗೆ ತೊಂದರೆಯಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಸಮಾಜ ಕಲ್ಯಾಣ ಇಲಾಖೆ ಮತ್ತು ಪರಿಶಿಷ್ಟ ವರ್ಗಗಳ ಕಲ್ಯಾಣ ಇಲಾಖೆಯ ವಿದ್ಯಾರ್ಥಿನಿಲಯಗಳನ್ನು ಕೋವಿಡ್-19 ರ ಹಿನ್ನೆಲೆಯಲ್ಲಿ ಶಿಕ್ಷಣ ಇಲಾಖೆಯ ಸುತ್ತೋಲೆ ಹಾಗೂ ಮಾರ್ಗಸೂಚಿಯನ್ನು ಅನುಸರಿಸಿ, ದಿನಾಂಕ:17-11-2020 ರಿಂದ ಮೆಟ್ರಿಕ್ ನಂತರದ ವಿದ್ಯಾರ್ಥಿನಿಲಯಗಳನ್ನು ಪ್ರಾರಂಭಿಸಲು ಆದೇಶಿಸಲಾಗಿದೆ ಹಾಗೂ ದಿನಾಂಕ: 23-12-2020 ರಲ್ಲಿ ಎಸ್.ಎಸ್.ಎಲ್.ಸಿ ಹಾಗೂ ದ್ವಿತೀಯ ಪಿ.ಯು.ಸಿ. ವಿದ್ಯಾರ್ಥಿಗಳಿಗೆ ಮೆಟ್ರಿಕ್ ಪೂರ್ವ ಹಾಗೂ ಮೆಟ್ರಿಕ್ ನಂತರದ ವಿದ್ಯಾರ್ಥಿನಿಲಯಗಳಲ್ಲಿ ಪ್ರವೇಶ ಕಲ್ಪಿಸಲು ಎಲ್ಲಾ ಜಿಲ್ಲೆಗಳಿಗೆ ನಿರ್ದೇಶನ ನೀಡಲಾಗಿದೆ.<br><br>ದಿನಾಂಕ:31-01-2020 ರಂದು ಎಲ್ಲಾ ವರ್ಗದ ನವೀಕರಣ ವಿದ್ಯಾರ್ಥಿಗಳಿಗೆ ಮೆಟ್ರಿಕ್ ನಂತರದ ವಿದ್ಯಾರ್ಥಿನಿಲಯಗಳಲ್ಲಿ ಪ್ರವೇಶಾವಕಾಶ ಕಲ್ಪಿಸಲು ಜಿಲ್ಲೆಗಳಿಗೆ ನಿರ್ದೇಶನ ನೀಡಿದ್ದು, ದಿನಾಂಕ:16-01-2021 ರಂದು ಇಲಾಖೆಯ ಮೆಟ್ರಿಕ್ ನಂತರದ ವಿದ್ಯಾರ್ಥಿನಿಲಯಗಳಲ್ಲಿ ಹೊಸ ವಿದ್ಯಾರ್ಥಿಗಳನ್ನು ದಾಖಲು ಮಾಡಲು ಅನುಮತಿ ನೀಡಲಾಗಿರುತ್ತದೆ.<br><br>ವಿದ್ಯಾರ್ಥಿನಿಲಯದ ನಿಲಯಾರ್ಥಿಗಳ ಸುರಕ್ಷತೆಯ ದೃಷ್ಟಿಯಿಂದ ಪ್ರಮಾಣಿತ ಕಾರ್ಯಾಚರಣೆ ವಿಧಾನಗಳನ್ನು (Standard Operating Procedure-SOP) ಕಡ್ಡಾಯವಾಗಿ ಪಾಲಿಸಿ ನಿಲಯಗಳನ್ನು ಪ್ರಾರಂಭಿಸಲು ಕ್ರಮವಹಿಸಲಾಗಿದೆ. |
| ಆ) | ಬಂದಿದ್ದಲ್ಲಿ, ಪೂರ್ಣ ಸುರಕ್ಷೆಯೊಂದಿಗೆ ವಿದ್ಯಾರ್ಥಿನಿಲಯಗಳನ್ನು ತೆರೆಯಲು ಕ್ರಮ ಕೈಗೊಳ್ಳಲಾಗುವುದೇ? | |

ಸಕಇ 25 ಪಕವಿ 2021

(ಬಿ. ಶ್ರೀರಾಮುಲು)
ಸಮಾಜ ಕಲ್ಯಾಣ ಸಚಿವರು.